# ಕರ್ನಾಟಕ ವಿಧಾನಸಭೆ

| | |
|---|---|
| ಸದಸ್ಯರ ಹೆಸರು | ಶ್ರೀ ದೇವೇಗೌಡ ಜಿ.ಟಿ (ಚಾಮುಂಡೇಶ್ವರಿ) |
| ಚುಕ್ಕೆ ಗುರುತಿನ ಪ್ರಶ್ನೆ ಸಂಖ್ಯೆ | 453 |
| ಉತ್ತರಿಸಬೇಕಾದ ದಿನಾಂಕ | 16-09-2022 |
| ಉತ್ತರಿಸಬೇಕಾದವರು | ನಗರಾಭಿವೃದ್ಧಿ ಸಚಿವರು |

| ಕ್ರ. ಸಂ | ಪ್ರಶ್ನೆ | ಉತ್ತರ |
|---|---|---|
| ಅ) | ಕರ್ನಾಟಕ ನಗರ ನೀರು ಸರಬರಾಜು ಮತ್ತು ಒಳ ಚರಂಡಿ ಮಂಡಳಿಯ ಮೈಸೂರು ವಿಭಾಗದ ಕಛೇರಿಯನ್ನು ಚಾಮರಾಜನಗರಕ್ಕೆ ಸ್ಥಳಾಂತರ ಮಾಡಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; (ಸಂಪೂರ್ಣ ವಿವರ ನೀಡುವುದು) | ಸರ್ಕಾರದ ಗಮನಕ್ಕೆ ಬಂದಿರುತ್ತದೆ.<br><br>ವ್ಯವಸ್ಥಾಪಕ ನಿರ್ದೇಶಕರು, ಕರ್ನಾಟಕ ನಗರ ನೀರು ಸರಬರಾಜು ಮತ್ತು ಒಳ ಚರಂಡಿ ಮಂಡಳಿ ಇವರು ಅಧಿಸೂಚನೆ ಸಂಖ್ಯೆ: ಕಜಮ/ಹಚ್.ಆರ್.ಡಿ-1/607/2022-23, ದಿನಾಂಕ 06.07.2022 ರನ್ವಯ ಮೈಸೂರು ವಿಭಾಗದ ಕಛೇರಿಯನ್ನು ಚಾಮರಾಜನಗರಕ್ಕೆ ಸ್ಥಳಾಂತರ ಮಾಡಿರುತ್ತಾರೆ. |
| ಆ) | ಬಂದಿದ್ದಲ್ಲಿ, ಕಛೇರಿಯನ್ನು ಸ್ಥಳಾಂತರ ಮಾಡಲು ಕಾರಣಗಳೇನು: (ಸಂಪೂರ್ಣ ಮಾಹಿತಿ ನೀಡುವುದು) | ಮೈಸೂರು ಜಿಲ್ಲೆ, ಚಾಮರಾಜನಗರ ಜಿಲ್ಲೆ ಮತ್ತು ಕೊಡಗು ಜಿಲ್ಲೆಗಳ ನಗರ ಮತ್ತು ಪಟ್ಟಣಗಳ ನೀರು ಸರಬರಾಜು ಮತ್ತು ಒಳಚರಂಡಿ ವ್ಯವಸ್ಥೆಯ ಕಾಮಗಾರಿಗಳನ್ನು ನಿರ್ವಹಿಸಲು ಮೈಸೂರು ನಗರದಲ್ಲಿ ಕರ್ನಾಟಕ ನಗರ ನೀರು ಸರಬರಾಜು ಮತ್ತು ಒಳಚರಂಡಿ ಮಂಡಳಿಯ ಕಾರ್ಯಪಾಲಕ ಅಭಿಯಂತರರ ಅಧೀನದಲ್ಲಿ 2 ವಿಭಾಗೀಯ ಕಛೇರಿಗಳನ್ನು ಸ್ಥಾಪಿಸಲಾಗಿರುತ್ತದೆ. ಈ ಕಛೇರಿಗಳಿಂದಲೇ ಮೈಸೂರು ಜಿಲ್ಲೆ, ಚಾಮರಾಜನಗರ ಜಿಲ್ಲೆ ಮತ್ತು ಕೊಡಗು ಜಿಲ್ಲೆಗಳಲ್ಲಿರುವ ನಗರ ಮತ್ತು ಪಟ್ಟಣಗಳ ನೀರು ಸರಬರಾಜು ಮತ್ತು ಒಳಚರಂಡಿ ವ್ಯವಸ್ಥೆಯ ಕಾಮಗಾರಿಗಳ ಅನುಷ್ಠಾನ ಮತ್ತು ಮೇಲ್ವಿಚಾರಣೆ ಮಾಡಲಾಗುತ್ತಿತ್ತು.<br><br>ಚಾಮರಾಜನಗರ ಮತ್ತು ಕೊಡಗು ಜಿಲ್ಲೆಗಳಲ್ಲಿ ಕರ್ನಾಟಕ ನಗರ ನೀರು ಸರಬರಾಜು ಮತ್ತು ಒಳಚರಂಡಿ ಮಂಡಳಿಯ ಕಛೇರಿಯು ಇರುವುದಿಲ್ಲ.<br><br>ಮೈಸೂರು ನಗರ ವಿಭಾಗದ ಕಛೇರಿಯಿಂದ (JnNurm) ಮೈಸೂರು ಮಹಾನಗರ ಪಾಲಿಕೆ ಮತ್ತು ಮೈಸೂರು ನಗರಾಭಿವೃದ್ಧಿ ಪ್ರಾಧಿಕಾರದ ವ್ಯಾಪ್ತಿಗೆ ಬರುವ ನೀರು ಸರಬರಾಜು ಮತ್ತು ಒಳಚರಂಡಿ ವ್ಯವಸ್ಥೆಯ |

| | | |
|---|---|---|
| | | ಕಾಮಗಾರಿಗಳ ಮೇಲ್ವಿಚಾರಣೆ ಹಾಗೂ ಹಳೇ ಉಂಡವಾಡಿಯಿಂದ ಮೈಸೂರು ನಗರಕ್ಕೆ ನೀರು ಸರಬರಾಜು ವ್ಯವಸ್ಥೆ ಕಲ್ಪಿಸುವ ಯೋಜನೆ/ ಕಾಮಗಾರಿಗಳನ್ನು ಅನುಷ್ಠಾನಗೊಳಿಸಲಾಗುತ್ತಿದೆ. ಮೈಸೂರು ನಗರದಲ್ಲಿ ಒಂದು ವಲಯ ಕಚೇರಿ, ಎರಡು ವಿಭಾಗೀಯ ಮತ್ತು 4 ಉಪ-ವಿಭಾಗೀಯ ಕಛೇರಿಗಳು ಒಂದೇ ಜಾಗದಲ್ಲಿ ಇರುತ್ತದೆ.<br><br>ಈ ಹಿನ್ನಲೆಯಲ್ಲಿ ಯೋಜನಾ ಕಾಮಗಾರಿಗಳನ್ನು ತ್ವರಿತಗತಿಯಲ್ಲಿ ಜಾರಿಗೊಳಿಸಲು ಹಾಗೂ ಈ ಕಾಮಗಾರಿಗಳ ಕಾರ್ಯಗತ ನಿರ್ವಹಣೆ/ ಮೇಲುಸ್ತುವಾರಿಯನ್ನು ಸುಗಮವಾಗಿ ನಿರ್ವಹಿಸುವ ಉದ್ದೇಶದಿಂದ ಮೈಸೂರು ನಗರದಲ್ಲಿರುವ ಕಾರ್ಯಪಾಲಕ ಅಭಿಯಂತರರ ಅಧೀನದಲ್ಲಿನ 2 ವಿಭಾಗೀಯ ಕಛೇರಿಗಳ ಪೈಕಿ 1 ವಿಭಾಗೀಯ ಕಛೇರಿಯನ್ನು ಚಾಮರಾಜನಗರ ಜಿಲ್ಲೆಗೆ ಸ್ಥಳಾಂತರಿಸಲಾಗಿರುತ್ತದೆ ಹಾಗೂ ಕೊಡಗು ಜಿಲ್ಲೆಯ ನಗರ ಮತ್ತು ಪಟ್ಟಣಗಳ ನೀರು ಸರಬರಾಜು ಮತ್ತು ಒಳಚರಂಡಿ ವ್ಯವಸ್ಥೆಯ ಕಾಮಗಾರಿಗಳ ನಿರ್ವಹಣೆಯನ್ನು ಮೈಸೂರು ನಗರದಲ್ಲಿರುವ ವಿಭಾಗೀಯ ಕಛೇರಿಯ (JnNurm) ವ್ಯಾಪ್ತಿಗೆ ಸೇರಿಸಲಾಗಿರುತ್ತದೆ. |
| ಇ) | ಹಾಗಿದ್ದಲ್ಲಿ, ಸದರಿ ಕಛೇರಿಯನ್ನು ಸ್ಥಳಾಂತರ ಮಾಡಿರುವುದರಿಂದ ಇಲ್ಲಿನ ಕೆಲಸ ಕಾರ್ಯಗಳಿಗೆ ತೊಂದರೆಯಾಗುವುದನ್ನು ತಡೆಯಲು ಸರ್ಕಾರವು ಕೈಗೊಂಡಿರುವ ಕ್ರಮಗಳೇನು? (ಸಂಪೂರ್ಣ ಮಾಹಿತಿ ನೀಡುವುದು) | ಮೈಸೂರು ನಗರ ವಿಭಾಗದ ಕಛೇರಿಯಿಂದ (JnNurm) ಮೈಸೂರು ಮಹಾನಗರ ಪಾಲಿಕೆ ಮತ್ತು ಮೈಸೂರು ನಗರಾಭಿವೃದ್ಧಿ ಪ್ರಾಧಿಕಾರದ ವ್ಯಾಪ್ತಿಗೆ ಬರುವ ನೀರು ಸರಬರಾಜು ಮತ್ತು ಒಳಚರಂಡಿ ವ್ಯವಸ್ಥೆಯ ಕಾಮಗಾರಿಗಳ ಮೇಲ್ವಿಚಾರಣೆ ಹಾಗೂ ಹಳೇ ಉಂಡವಾಡಿಯಿಂದ ಮೈಸೂರು ನಗರಕ್ಕೆ ನೀರು ಸರಬರಾಜು ವ್ಯವಸ್ಥೆ ಕಲ್ಪಿಸುವ ಯೋಜನೆ/ ಕಾಮಗಾರಿಗಳನ್ನು ಹಾಗೂ ಕೊಡಗು ಜಿಲ್ಲೆಯಲ್ಲಿನ ನಗರ ಮತ್ತು ಪಟ್ಟಣಗಳ ನೀರು ಸರಬರಾಜು ಮತ್ತು ಒಳಚರಂಡಿ ವ್ಯವಸ್ಥೆಯ ಕಾಮಗಾರಿಗಳ ಅನುಷ್ಠಾನ/ ಮೇಲ್ವಿಚಾರಣೆಯನ್ನು ನಿರ್ವಹಿಸಲಾಗುತ್ತಿದ್ದು, ಈ ಕಛೇರಿಗಳನ್ನು ವಿಕೇಂದ್ರಿಕರಣಗೊಳಿಸಿರುವುದರಿಂದ ಮಂಡಳಿಯ ಕೆಲಸಕಾರ್ಯಗಳಿಗೆ ತೊಂದರೆಯಾಗಿರುವುದಿಲ್ಲ. |

ಸಂಖ್ಯೆ : ನಅಇ 135 ಯುಎಂಎಸ್ 2022

(ಬಿ.ಎ.ಬಸವರಾಜ)
ನಗರಾಭಿವೃದ್ಧಿ ಸಚಿವರು.

(ಬಿ.ಎ. ಬಸವರಾಜ)
ನಗರಾಭಿವೃದ್ಧಿ ಸಚಿವರು